ಕ್ರೈಸ್ ಅಧೀನದಲ್ಲಿ ನಡೆಯುತ್ತಿರುವ ವಸತಿ ಶಾಲೆಯ ನೌಕರರುಗಳ ಸಮಸ್ಯೆಗಳ ಕುರಿತು

ಶ್ರೀ ನಿರಾಣಿ ಹಣಮಂತ್ ರುದ್ರಪ್ಪ (ಪದವೀಧರರ ಕ್ಷೇತ್ರ) :-

31 (41) ಮಾನ್ಯ ಸಮಾಜ ಕಲ್ಯಾಣ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) ಕರ್ನಾಟಕ ವಸತಿ ಶಿಕ್ಷಣ ಸಂಸ್ಥೆಗಳ ಸಂಘದ (ಕ್ರೈಸ್) ವತಿಯಿಂದ ನಡೆಯುತ್ತಿರುವ ವಸತಿ ಶಾಲೆಗಳಲ್ಲಿ ಕಾರ್ಯನಿರ್ವಹಿಸುತ್ತಿರುವ ಬೋಧಕ ಮತ್ತು ಬೋಧಕೇತರ ಸಿಬ್ಬಂದಿಗಳ ಸಮಸ್ಯೆಗಳು ಸರ್ಕಾರದ ಗಮನಕ್ಕೆ ಬಂದಿವೆಯೇ;

(ಆ) ಕುಮಾರನಾಯಕ ವರದಿಯಂತೆ ಸದರಿ ನೌಕರರುಗಳಿಗೆ ಸೌಲಭ್ಯಗಳನ್ನು ಕಲ್ಪಿಸುವಲ್ಲಿ ಸರ್ಕಾರ ವಿಳಂಬನೀತಿ ಅನುಸರಿಸುತ್ತಿರುವುದಕ್ಕೆ ಕಾರಣಗಳೇನು;

(ಇ) ಕ್ರೈಸ್ ಅಧೀನದಲ್ಲಿ ನಡೆಯುತ್ತಿದ್ದ ಅಲ್ಪಸಂಖ್ಯಾತರ ವಸತಿಶಾಲೆಗಳನ್ನು ಅಲ್ಪಸಂಖ್ಯಾತರ ಕಲ್ಯಾಣ ಇಲಾಖೆಯಲ್ಲಿ ವಿಲೀನಗೊಳಿಸಿದಂತೆ ಪರಿಶಿಷ್ಟ ಪಂಗಡಗಳ ಮೊರಾರ್ಜಿ ದೇಸಾಯಿ/ರಾಣಿಚೆನ್ನಮ್ಮ ವಸತಿಶಾಲೆಗಳನ್ನು ಸಮಾಜ ಕಲ್ಯಾಣ ಇಲಾಖೆಗೆ ವಿಲೀನಗೊಳಿಸಿ, ನೌಕರರುಗಳಿಗೆ ಸೌಲಭ್ಯಗಳನ್ನು ಒದಗಿಸಲು ಸರ್ಕಾರ ವಿಳಂಬ ಮಾಡುತ್ತಿರುವುದಕ್ಕೆ ಕಾರಣಗಳೇನು;

(ಈ) ಸದರಿ ಶಾಲೆಗಳನ್ನು ಸಮಾಜ ಕಲ್ಯಾಣ ಇಲಾಖೆಯಲ್ಲಿ ವಿಲೀನಗೊಳಿಸಿ, ಇತರೆ ಇಲಾಖೆಯ ಸರ್ಕಾರಿ ನೌಕರರಿಗೆ ಮತ್ತು ಶಿಕ್ಷಕರಿಗೆ ಇರುವ ಸೌಲಭ್ಯಗಳಂತೆ ಸದರಿ ನೌಕರರುಗಳಿಗೆ ಸೌಲಭ್ಯಗಳನ್ನು ಕಲ್ಪಿಸಲು ಸರ್ಕಾರ ಮುಂದಾಗುವುದೇ; ಹಾಗೂ ಯಾವ ಕಾಲಮಿತಿಯಲ್ಲಿ ಸದರಿ ಪ್ರಕ್ರಿಯೆಯನ್ನು ಪೂರ್ಣಗೊಳಿಸಲಾಗುವುದು?